ಸದನದಲ್ಲಿ ಉತ್ತರಿಸುವ ಪ್ರಶ್ನೆ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಬುಧವಾರ, ದಿನಾಂಕ: 17ನೇ ಜುಲೈ, 2019

ವಿಶೇಷ ಚೇತನರ ಶಾಲೆಗಳ ಶಿಕ್ಷಕ ಹಾಗೂ ಶಿಕ್ಷಕೇತರ ಬೇಡಿಕೆಗಳ ಕುರಿತು

ಶ್ರೀ ಎಸ್.ವ್ಹಿ. ಸಂಕನೂರ (ಪದವೀಧರರ ಕ್ಷೇತ್ರ) -

32 (381) ಮಹಿಳೆಯರ ಮತ್ತು ಮಕ್ಕಳ ಅಭಿವೃದ್ಧಿ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಮಹಿಳಾ ಮತ್ತು ಮಕ್ಕಳ ಕಲ್ಯಾಣ ಇಲಾಖೆಯಿಂದ ಎಷ್ಟು ವಿಶೇಷ ಚೇತನರ ಶಾಲೆಗಳಿಗೆ ಅನುದಾನವನ್ನು ಬಿಡುಗಡೆ ಮಾಡಲಾಗುತ್ತಿದೆ ; (ವಿವರ ನೀಡುವುದು)

(ಆ) ಈ ವಿಶೇಷ ಚೇತನ ಶಾಲೆಗಳಲ್ಲಿ ಮಕ್ಕಳ ಸಂಖ್ಯೆ ಆಧಾರದ ಮೇಲೆ ಅನುದಾನ ಬಿಡುಗಡೆ ಮಾಡುವ ಶಾಲೆಗಳ ಸಂಖ್ಯೆ ಎಷ್ಟು ; ಅದೇ ರೀತಿ ಸಾರ್ವಜನಿಕ ಶಿಕ್ಷಣ ಮಾದರಿಯಲ್ಲಿ ಅನುದಾನ ಬಿಡುಗಡೆ ಮಾಡುವ ಶಾಲೆಗಳ ಸಂಖ್ಯೆ ಎಷ್ಟು ; (ವಿವರ ನೀಡುವುದು)

(ಇ) ಮಕ್ಕಳ ಸಂಖ್ಯೆ ಆಧಾರದ ಮೇಲೆ ಅನುದಾನ ಸ್ವೀಕರಿಸುತ್ತಿರುವ ಶಾಲೆಗಳ ಶಿಕ್ಷಕ/ಶಿಕ್ಷಕೇತರರು ತಮ್ಮ ಶಾಲೆಗಳನ್ನು ಸಾರ್ವಜನಿಕ ಶಿಕ್ಷಣ ಮಾದರಿಯಂತೆ ಅನುದಾನ ಬಿಡುಗಡೆ ಮಾಡಲು ಮನವಿ ಸಲ್ಲಿಸಿದ್ದು, ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಸರ್ಕಾರ ಕೈಗೊಂಡ ಕ್ರಮಗಳೇನು ?